ಸದನದಲ್ಲಿ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ಸೋಮವಾರ, ದಿನಾಂಕ: 09ನೇ ಮಾರ್ಚ್, 2020

ಭಾಷಾ ಅಲ್ಪಸಂಖ್ಯಾತ ಶಾಲೆಗಳ ರೋಸ್ಟರ್ ವಿನಾಯಿತಿ ಬಗ್ಗೆ

ಶ್ರೀ ಅರುಣ ಶಹಾಪುರ (ಶಿಕ್ಷಕರ ಕ್ಷೇತ್ರ)

73 (533) ಮಾನ್ಯ ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಮತ್ತು ಸಕಾಲ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ-

(ಅ) ಭಾಷಾ ಅಲ್ಪಸಂಖ್ಯಾತ ಅನುದಾನಿತ ಶಾಲಾ ಕಾಲೇಜುಗಳಲ್ಲಿ ಖಾಲಿ ಇರುವ ಭೋದಕ ಹುದ್ದೆಗಳನ್ನು ಭರ್ತಿ ಮಾಡಿಕೊಳ್ಳಲು ಇರುವ ನಿಯಮಾವಳಿಗಳೇನು; ರೋಸ್ಟರ್ ಅನ್ವಯವಾಗುತ್ತದೆಯೇ ;

(ಆ) ಪ್ರಸ್ತುತ ಭಾಷಾ ಅಲ್ಪಸಂಖ್ಯಾತ ಶಾಲಾ ಕಾಲೇಜುಗಳಲ್ಲಿ ಎಷ್ಟು ಹುದ್ದೆಗಳು ಖಾಲಿ ಇವೆ ; (ವಿಜಯಪುರ/ಬಾಗಲಕೋಟೆ ಮತ್ತು ಬೆಳಗಾವಿ ಜಿಲ್ಲೆಗಳ ಮಾಹಿತಿ ನೀಡುವುದು)

(ಇ) ಈ ರೋಸ್ಟರ್ ನಿಯಮಾವಳಿಗಳ ಹುದ್ದೆಗಳನ್ನು ಭರ್ತಿ ಮಾಡಿಕೊಳ್ಳಲು ಸಾಧ್ಯವಾಗದೇ ರೋಸ್ಟರ್ ನಿಯಮಾವಳಿಗಳಲ್ಲಿ ವಿನಾಯಿತಿಯನ್ನು ನೀಡುವಂತೆ ಬೇಡಿಕೆ ಇರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ; ಬಂದಿದ್ದಲ್ಲಿ, ಯಾವ ಯಾವ ವಿನಾಯಿತಿಗಳನ್ನು ನೀಡಲು ಸರ್ಕಾರ ಮುಂದಾಗಿದೆ ; (ವಿವರವನ್ನು ಒದಗಿಸುವುದು)

(ಈ) ಈ ಪ್ರಾಥಮಿಕ ಪ್ರೌಢ ಶಾಲೆಗಳಲ್ಲಿ ಶಿಕ್ಷಕ/ಮಕ್ಕಳ ಅನುಪಾತ ಎಷ್ಟು ; ಈ ನಿಯಮಾವಳಿಗಳಿಂದ ಈ ಶಿಕ್ಷಣ ಸಂಸ್ಥೆಗಳಿಗೆ ಅನ್ಯಾಯವಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ; ಭಾಷಿಕ/ಧಾರ್ಮಿಕ ಅಲ್ಪಸಂಖ್ಯಾತ ಶಾಲೆಗಳಲ್ಲಿ ತಾರತಮ್ಯವಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ಸರಿಪಡಿಸಲು ಸರ್ಕಾರ ತೆಗೆದುಕೊಂಡ ಕ್ರಮಗಳೇನು ?